ವ್ಯವಸಾಯ ಸೇವಾ ಸಹಕಾರ ಸಂಘದಲ್ಲಿ ಅವ್ಯವಹಾರ ಆಗಿರುವ ಬಗ್ಗೆ

ಶ್ರೀ ಅ. ದೇವೇಗೌಡ (ಪದವೀಧರರ ಕ್ಷೇತ್ರ):-

67 (47) ಮಾನ್ಯ ಸಹಕಾರ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕಳೆದ 5 ವರ್ಷದಿಂದ ಮಂಡ್ಯ ಜಿಲ್ಲೆಯ ಪಾಂಡವಪುರ ತಾಲ್ಲೂಕಿನ ಮೇಲುಕೋಟೆ ಹೋಬಳಿಯ ನ್ಯಾಮನಹಳ್ಳಿ ವ್ಯವಸಾಯ ಸೇವಾ ಸಹಕಾರ ಸಂಘದಲ್ಲಿ ಎಷ್ಟು ಜನರಿಗೆ ಸಾಲ ಸೌಲಭ್ಯ ಕಲ್ಪಿಸಲಾಗಿದೆ; (ಸಂಪೂರ್ಣ ವಿವರ ನೀಡುವುದು)

(ಆ) ಈ ಪೈಕಿ ಸಾಲವನ್ನು ಮರುಪಾವತಿ ಮಾಡಿರುವ ಮತ್ತು ಬಾಕಿ ಉಳಿಸಿಕೊಂಡವರ ಸಂಪೂರ್ಣ ವಿವರ ನೀಡುವುದು ;

(ಇ) ಬಾಕಿ ಉಳಿಸಿಕೊಂಡವರ ವಿರುದ್ಧ ಮತ್ತು ಬಾಕಿ ವಸೂಲಿಗೆ ಯಾವ ಕ್ರಮಕೈಗೊಳ್ಳಲಾಗಿದೆ ;

(ಈ) ಕಮೀಷನ್ ಪಡೆದು ಸಾಲ ಮಂಜೂರು ಮಾಡಿರುವುದು ಮತ್ತು ಸಾಲ ವಸೂಲಾತಿಯಲ್ಲಿ ಅವ್ಯವಹಾರಗಳು ನಡೆದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಅವರ ವಿರುದ್ಧ ಕೈಗೊಂಡಿರುವ ಶಿಸ್ತು ಕ್ರಮಗಳೇನು ? (ಸಂಪೂರ್ಣ ವಿವರ ನೀಡುವುದು)